ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತೊಂದನೆಯ ಅಧಿವೇಶನ

ಸೋಮವಾರ, ದಿನಾಂಕ : 28 ನೇ ಸೆಪ್ಟೆಂಬರ್, 2020

ಕಾರ್ಮಿಕರಿಗೆ ಉದ್ಯೋಗ ಭದ್ರತೆ ಮತ್ತು ವೇತನ ಪಾವತಿ ಮಾಡುವ ಕುರಿತು

ಶ್ರೀ ಎಸ್.ಎಲ್. ಭೋಜೇಗೌಡ (ಶಿಕ್ಷಕರ ಕ್ಷೇತ್ರ) :-

758 (928) ಮಾನ್ಯ ಕಾರ್ಮಿಕ ಹಾಗೂ ಸಕ್ಕರೆ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ರಾಜ್ಯದಲ್ಲಿರುವ ಕಾರ್ಮಿಕರ ರಕ್ಷಣೆಯಲ್ಲಿ ಸರ್ಕಾರವು ವಿಫಲವಾಗಿರುವುದು ಸರ್ಕಾರದ ಗಮನದಲ್ಲಿದೆಯೇ ;

(ಆ) ಕಾರ್ಮಿಕರಿಗೆ ಸಿಗಬೇಕಾದ ಸವಲತ್ತುಗಳು ಸರಿಯಾಗಿ ದೊರಕುತ್ತಿವೆಯೇ; ಹಾಗಿದ್ದಲ್ಲಿ, ಸರ್ಕಾರದ ವತಿಯಿಂದ ಕಾರ್ಮಿಕರಿಗೆ ಸಿಗುವ ಸವಲತ್ತುಗಳೇನು ;

(ಇ) ಲಾಕ್‌ಡೌನ್ ಸಮಯದಲ್ಲಿ ಕಾರ್ಮಿಕರ ರಕ್ಷಣೆ ಮತ್ತು ಅವರ ಜೀವನ ನಿರ್ವಹಣೆಗೆ ಸರ್ಕಾರದ ಮಟ್ಟದಲ್ಲಿ ಕೈಗೊಂಡ ಕ್ರಮಗಳೇನು ;

(ಈ) ಕಾರ್ಮಿಕರು ಈ ಕ್ಲಿಷ್ಟಕರ ಸನ್ನಿವೇಶವಾದ ಕೋವಿಡ್-19 ಸಮಯದಲ್ಲಿ ಉದ್ಯೋಗವಿಲ್ಲದೆ ಕಷ್ಟಪಡುತ್ತಿದ್ದು, ಇವರಿಗೆ ಉದ್ಯೋಗ ಭದ್ರತೆ ನೀಡುವಲ್ಲಿ ಸರ್ಕಾರವು ಹೆಜ್ಜೆ ಇಟ್ಟಿದೆಯೇ ; ಹಾಗಿದ್ದಲ್ಲಿ, ಯಾವ ರೀತಿ ಕ್ರಮ ಕೈಗೊಂಡಿದೆ ; (ಪೂರ್ಣ ಮಾಹಿತಿ ನೀಡುವುದು)

(ಉ) ಎಷ್ಟೋ ಕಾರ್ಮಿಕರಿಗೆ ತಿಂಗಳಿಗೆ ಸರಿಯಾಗಿ ಸಂಬಳ ದೊರೆಯದೆ, ಎರಡು ತಿಂಗಳಿಗೋ, ಮೂರು ತಿಂಗಳಿಗೋ ವೇತನ ದೊರಕುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ; ಹಾಗಿದ್ದಲ್ಲಿ, ಕಾರ್ಮಿಕರಿಗೆ ತಿಂಗಳಿಗೆ ಸರಿಯಾಗಿ ವೇತನ ದೊರಕುವಂತೆ ಮಾಡಲು ಸರ್ಕಾರ ಕೈಗೊಂಡ ಕ್ರಮಗಳೇನು ?